

# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 1339 |
| ಸದಸ್ಯರ ಹೆಸರು | : | ಶ್ರೀ ಚಿದಾನಂದ್ ಎಂ.ಗೌಡ |
| ಉತ್ತರಿಸುವ ದಿನಾಂಕ | : | 24/12/2021 |
| ಉತ್ತರಿಸುವ ಸಚಿವರು | : | ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು |

| ಕ್ರ. ಸ. | ಪ್ರಶ್ನೆ | ಉತ್ತರ |
|---|---|---|
| ಅ) | ದಾವಣಗೆರೆ, ಚಿತ್ರದುರ್ಗ, ಕೋಲಾರ, ಚಿಕ್ಕಬಳ್ಳಾಪುರ ಜಿಲ್ಲೆಗಳ ವ್ಯಾಪ್ತಿಯಲ್ಲಿ ವಿದ್ಯಾರ್ಜನೆಗೆ ಬೇರೆ ಬೇರೆ ಜಿಲ್ಲೆ ಹಾಗೂ ತಾಲ್ಲೂಕಿನಿಂದ ಬರುವ ವಿದ್ಯಾರ್ಥಿ/ವಿದ್ಯಾರ್ಥಿನಿಯರಿಗೆ ವಸತಿ ಸೌಲಭ್ಯ ಸಿಗದಿರುವ ಬಗ್ಗೆ ಸರ್ಕಾರದ ಗಮನಕ್ಕೆ ಬಂದಿದೆಯೇ; | ಇಲ್ಲ.<br>ಸಮಾಜ ಕಲ್ಯಾಣ ಇಲಾಖೆಯ ಮೆಟ್ರಿಕ್ ಪೂರ್ವ ಹಾಗೂ ಮೆಟ್ರಿಕ್ ನಂತರದ ವಿದ್ಯಾರ್ಥಿ ನಿಲಯಗಳಿಗೆ ಪ್ರವೇಶ ಕೋರಿ ಅರ್ಜಿ ಸಲ್ಲಿಸುವ ಎಲ್ಲಾ ಅರ್ಹ ಪರಿಶಿಷ್ಟ ಜಾತಿ ವಿದ್ಯಾರ್ಥಿಗಳಿಗೆ ಪ್ರವೇಶಾವಕಾಶ ಕಲ್ಪಿಸಲಾಗಿದೆ. |
| ಆ) | ಬಂದಿದ್ದಲ್ಲಿ, ಹೊಸದಾಗಿ ಸಮಾಜ ಕಲ್ಯಾಣ ಇಲಾಖೆಯ ವಸತಿ ನಿಲಯಗಳ ನಿರ್ಮಾಣಕ್ಕೆ ಸರ್ಕಾರ ಕೈಗೊಂಡ ಕ್ರಮಗಳೇನು; | ದಾವಣಗೆರೆ ಮತ್ತು ಚಿತ್ರದುರ್ಗ ಜಿಲ್ಲಾ ಕೇಂದ್ರಸ್ಥಾನಗಳಲ್ಲಿ ತಲಾ ಒಂದು ಮೆಟ್ರಿಕ್ ನಂತರದ ಬಾಲಕಿಯರ ಮತ್ತು ಒಂದು ಮೆಟ್ರಿಕ್ ನಂತರದ ಬಾಲಕರ ವಿದ್ಯಾರ್ಥಿ ನಿಲಯ ಮಂಜೂರು ಮಾಡುವ ಪ್ರಸ್ತಾವನೆ ಪರಿಶೀಲನೆಯಲ್ಲಿದೆ. |
| ಇ) | ಹಾಲಿ ಇರುವ ವಸತಿ ನಿಲಯಗಳ ಸಂಖ್ಯೆಗಳನ್ನು ಹೆಚ್ಚಿಸಲು ಸರ್ಕಾರ ಕೈಗೊಂಡ ಕ್ರಮಗಳೇನು; | 2021-22ನೇ ಸಾಲಿನ ಆಯವ್ಯಯ ಘೋಷಣೆಯಂತೆ ಮೆಟ್ರಿಕ್ ನಂತರದ ವಿದ್ಯಾರ್ಥಿ ನಿಲಯಗಳಿಗೆ ಅತಿ ಹೆಚ್ಚು ಬೇಡಿಕೆ ಇರುವ ಜಿಲ್ಲಾ ಕೇಂದ್ರ ಸ್ಥಾನಗಳಲ್ಲಿ ಸಮಾಜ ಕಲ್ಯಾಣ ಇಲಾಖೆಯಿಂದ 35 ಹೊಸ ಮೆಟ್ರಿಕ್ ನಂತರದ ವಿದ್ಯಾರ್ಥಿ ನಿಲಯಗಳನ್ನು ಪ್ರಾರಂಭಿಸಲು ಮಂಜೂರಾತಿ ನೀಡಿ ಆದೇಶಿಸಿದೆ. ಅದರಂತೆ 15 ಮೆಟ್ರಿಕ್ ನಂತರದ ಬಾಲಕರ ಮತ್ತು 20 ಮೆಟ್ರಿಕ್ ನಂತರದ ಬಾಲಕಿಯರ ವಿದ್ಯಾರ್ಥಿ ನಿಲಯಗಳನ್ನು ಮಂಜೂರು ಮಾಡುವ ಪ್ರಸ್ತಾವನೆ ಪರಿಶೀಲನೆಯಲ್ಲಿದೆ. |

| | | |
|---|---|---|
| ಈ) | ಅದೇ ರೀತಿ ಬೇರೆ ಬೇರೆ ಜಿಲ್ಲೆಗಳಲ್ಲಿ ಮಂಜೂರಾತಿ ಸಂಖ್ಯೆಗಳಿಗಿಂತ ಅರ್ಜಿ ಸಲ್ಲಿಸಿರುವ ವಿದ್ಯಾರ್ಥಿಗಳ ಸಂಖ್ಯೆ ಕಡಿಮೆ ಇರುವುದರಿಂದ. ಅಲ್ಲಿ ಬಾಕಿ ಇರುವ ಮಂಜೂರಾತಿ ಸಂಖ್ಯೆಗಳನ್ನು ಅವಶ್ಯಕತೆ ಇರುವ ಜಿಲ್ಲೆ ಮತ್ತು ತಾಲ್ಲೂಕಿಗೆ ವರ್ಗಾಯಿಸಲು ಸರ್ಕಾರದ ಮುಂದೆ ಪ್ರಸ್ತಾವನೆ ಇದೇಯೇ? | ವಿದ್ಯಾರ್ಥಿ ನಿಲಯಗಳಿಗೆ ಪ್ರವೇಶ ಕೋರಿ ಅರ್ಜಿ ಸಲ್ಲಿಸುವ ಎಲ್ಲಾ ಅರ್ಹ ಪ.ಜಾತಿ/ಪ.ವರ್ಗದ ವಿದ್ಯಾರ್ಥಿಗಳಿಗೆ ಪ್ರವೇಶಾವಕಾಶ ಕಲ್ಪಿಸುತ್ತಿರುವುದರಿಂದ ಮಂಜೂರಾತಿ ಸಂಖ್ಯೆಗಳನ್ನು ವರ್ಗಾಯಿಸುವ ಅಗತ್ಯತೆ ಇರುವುದಿಲ್ಲ.<br><br>ದಾಖಲಾತಿ ಕೊರತೆ ಇರುವಂತಹ ಮೆಟ್ರಿಕ್ ಪೂರ್ವ ವಿದ್ಯಾರ್ಥಿ ನಿಲಯಗಳನ್ನು ಮೆಟ್ರಿಕ್ ನಂತರದ ವಿದ್ಯಾರ್ಥಿ ನಿಲಯಗಳನ್ನು ಉನ್ನತೀಕರಿಸಲು ಹಾಗೂ ದಾಖಲಾತಿ ಸಂಖ್ಯೆ ಕೊರತೆ ಇರುವ ಮೆಟ್ರಿಕ್ ನಂತರದ ವಿದ್ಯಾರ್ಥಿ ನಿಲಯಗಳನ್ನು ಬೇಡಿಕೆ ಇರುವ ಸ್ಥಳಕ್ಕೆ ವರ್ಗಾಯಿಸಲು ಸೂಕ್ತ ಪ್ರಸ್ತಾವನೆ ಸಲ್ಲಿಸುವಂತೆ ಜಿಲ್ಲೆಗಳ ಜಂಟಿ ನಿರ್ದೇಶಕರು/ಉಪ ನಿರ್ದೇಶಕರುಗಳಿಗೆ ಸೂಚನೆ ನೀಡಲಾಗಿದೆ. ಜಿಲ್ಲೆಗಳಿಂದ ಸ್ವೀಕೃತವಾಗುವ ಪ್ರಸ್ತಾವನೆಗಳನ್ನು ಪರಿಶೀಲಿಸಿ ಕ್ರಮವಹಿಸಲಾಗುವುದು. |

ಸಕಇ 504 ಪಕವಿ 2021

(ಕೋಟ ಶ್ರೀನಿವಾಸ ಪೂಜಾರಿ)
ಸಮಾಜ ಕಲ್ಯಾಣ ಮತ್ತು
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು